ಲಿಖಿತ ಮೂಲಕ ಉತ್ತರಿಸುವ

# ಕರ್ನಾಟಕ ವಿಧಾನ ಪರಿಷತ್ತು

ನೂರ ಮೂವತ್ತೆಂಟನೆಯ ಅಧಿವೇಶನ

ಮಂಗಳವಾರ, ದಿನಾಂಕ : 23ನೇ ಜುಲೈ, 2019

ಆಯುಷ್ಮಾನ್ ಭಾರತ್ ಆರೋಗ್ಯ ಕರ್ನಾಟಕ ಯೋಜನೆಯ ಅನುಷ್ಠಾನದಲ್ಲಿ ಆಗುತ್ತಿರುವ ದುರ್ಬಳಕೆ ಬಗ್ಗೆ

ಶ್ರೀ ಕವಟಗಿಮಠ ಮಹಾಂತೇಶ ಮಲ್ಲಿಕಾರ್ಜುನ (ಸ್ಥಳೀಯ ಸಂಸ್ಥೆಗಳ ಕ್ಷೇತ್ರ):-

509 (690) ಮಾನ್ಯ ಆರೋಗ್ಯ ಮತ್ತು ಕುಟುಂಬ ಕಲ್ಯಾಣ ಸಚಿವರು ಈ ವಿಷಯಗಳನ್ನು ದಯವಿಟ್ಟು ತಿಳಿಸುವರೆ :-

(ಅ) ಬಡವರು ಹಾಗೂ ಮಧ್ಯಮ ವರ್ಗದ ಜನರಿಗೆ ಉಚಿತ ಆರೋಗ್ಯ ಸೇವೆಯನ್ನು ಒದಗಿಸಲು ಜಾರಿಗೆ ತಂದಿರುವ "ಆಯುಷ್ಮಾನ್  ಭಾರತ್ ಆರೋಗ್ಯ ಕರ್ನಾಟಕ" ಯೋಜನೆಯ ಅನುಷ್ಠಾನದಲ್ಲಿ ದುರ್ಬಳಕೆಯಾಗುತ್ತಿರುವುದು ಸರ್ಕಾರದ ಗಮನಕ್ಕೆ ಬಂದಿದೆಯೇ ;

(ಆ) ಬೆಳಗಾವಿ ಜಿಲ್ಲೆಯಲ್ಲಿ ಈ ಯೋಜನೆಗಾಗಿ ನೀಡುವ ಕಾರ್ಡುಗಳನ್ನು ವಿತರಿಸಲು ಸರ್ಕಾರ ನಿಯೋಜಿಸಿದ ಸಂಸ್ಥೆಗಳ ಹೆಸರುಗಳನ್ನು ನೀಡುವುದು ;

(ಇ) "ಅನರ್ಹರಿಗೂ ಆಯುಷ್ಮಾನ್ " ಶೀರ್ಷಿಕೆಯಲ್ಲಿ ಏಪ್ರಿಲ್ 26 ರಂದು ಕನ್ನಡ ಪತ್ರಿಕೆಯೊಂದರಲ್ಲಿ ಫಲಾನುಭವಿಗಳಿಂದ

ನಿಗದಿಪಡಿಸಿದ ದರಕ್ಕಿಂತ ಹೆಚ್ಚು ಹಣ ವಸೂಲಿ ಮಾಡಿ ಅನರ್ಹರಿಗೂ ಕಾರ್ಡ್ ನೀಡಿರುವ ಕುರಿತು ವರದಿಯಾಗಿರುವುದು ಸರ್ಕಾರದ ಗಮನಕ್ಕೆ ಬಂದಿದೆಯೇ ;

(ಈ) ಇಂತಹ ಅವ್ಯವಹಾರವನ್ನು ತಡೆಯಲು ಸರ್ಕಾರ ಕೈಗೊಂಡ ಕ್ರಮಗಳೇನು ಹಾಗೂ ಈಗಾಗಲೇ ತಪ್ಪು ಎಸಗಿರುವವರ ಮೇಲೆ ಯಾವ ಕ್ರಮ ಕೈಗೊಳ್ಳಲಾಗಿದೆ ?